## ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 802
ಸದಸ್ಯರ ಹೆಸರು : ಶ್ರೀ ಅ. ದೇವೇಗೌಡ (ಪದವೀಧರರ ಕ್ಷೇತ್ರ)
ಉತ್ತರಿಸುವ ದಿನಾಂಕ : 25-09-2020.
ಉತ್ತರಿಸುವವರು : ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು.

| ಕ್ರಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ಮಂಡ್ಯ ಜಿಲ್ಲೆ, ಪಾಂಡವಪುರ ತಾಲ್ಲೂಕು, ಮೇಲುಕೋಟೆ ಹೋಬಳಿಯ ಎಂ. ಶೆಟ್ಟಿಹಳ್ಳಿ ಗ್ರಾಮದಲ್ಲಿ ಕಳೆದ 5 ವರ್ಷಗಳಿಂದ ಗ್ರಾಮ ಪಂಚಾಯಿತಿ ಯೋಜನೆಯಡಿಯಲ್ಲಿ ಎಷ್ಟು ಅಭಿವೃದ್ಧಿ ಕಾರ್ಯಗಳಾಗಿವೆ: ಅಭಿವೃದ್ಧಿ ಕಾರ್ಯದಲ್ಲಿ ಅವ್ಯವಹಾರ ಆಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ: (ಬಂದಿದ್ದಲ್ಲಿ ಸಂಪೂರ್ಣ ಮಾಹಿತಿ ನೀಡುವುದು) | ಮಾಣಿಕ್ಯನಹಳ್ಳಿ ಗ್ರಾಮ ಪಂಚಾಯಿತಿ ವತಿಯಿಂದ ಎಂ.ಶೆಟ್ಟಹಳ್ಳಿ ಗ್ರಾಮದಲ್ಲಿ ಕಳೆದ 05 ವರ್ಷಗಳಲ್ಲಿ ಒಟ್ಟು 21 ಕಾಮಗಾರಿಗಳನ್ನು ಕೈಗೊಳ್ಳಲಾಗಿರುತ್ತದೆ.<br><br>ಸದರಿ ಕಾಮಗಾರಿಗಳಲ್ಲಿ ಅವ್ಯವಹಾರದ ಬಗ್ಗೆ ದೂರುಗಳು ಬಂದಿರುವುದಿಲ್ಲ. |
| (ಆ) | ಎಂ. ಶೆಟ್ಟಿಹಳ್ಳಿ ಗ್ರಾಮಕ್ಕೆ ಹೋಗುವ ರಸ್ತೆಯು ಸಂಪೂರ್ಣ ಹಾಳಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ ಯಾವಾಗ ರಸ್ತೆ ಅಭಿವೃದ್ಧಿ ಕಾರ್ಯವನ್ನು ಪ್ರಾರಂಭಿಸಲಾಗುವುದು; (ಸಂಪೂರ್ಣ ಮಾಹಿತಿ ನೀಡುವುದು) | ಎಂ.ಶೆಟ್ಟಹಳ್ಳಿ ಗ್ರಾಮಕ್ಕೆ ಹೋಗುವ ರಸ್ತೆಯ ಸಂಪೂರ್ಣ ಹಾಳಾಗಿರುವ ಬಗ್ಗೆ ದೂರುಗಳು ಬಂದಿರುವುದಿಲ್ಲ. |
| (ಇ) | ಎಂ. ಶೆಟ್ಟಿಹಳ್ಳಿ ಗ್ರಾಮದಲ್ಲಿ ಅದೇ ಗ್ರಾಮದ ಗ್ರಾಮ ಪಂಚಾಯತ್ ಸದಸ್ಯರು ಕೆಲವು ಜನರ ಜೊತೆ ಸೇರಿಕೊಂಡು ರಸ್ತೆ ಅಗಲೀಕರಣಕ್ಕೆಂದು ರೈತರೊಬ್ಬರ ಮನೆಯನ್ನು ಕೆಡವಿ ಮನೆಯವರ ಮೆಲೆ ಮಾರಣಾಂತಿಕ ಹಲ್ಲೆ ಮಾಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ತಪ್ಪಿತಸ್ಥರ ವಿರುದ್ಧ ಯಾವ ಕ್ರಮ ಕೈಗೊಳ್ಳಲಾಗಿದೆ; (ಸಂಪೂರ್ಣ ಮಾಹಿತಿ ನೀಡುವುದು) | ಬಂದಿರುವುದಿಲ್ಲ. |
| (ಈ) | ಕಳೆದ 5 ವರ್ಷಗಳಿಂದ ಎಂ. ಶೆಟ್ಟಿಹಳ್ಳಿ ಗ್ರಾಮ ಪಂಚಾಯತ್ ಯೋಜನೆಯಡಿ ಯಾವ ಯಾವ ಕಾರ್ಯಗಳು ಅಭಿವೃದ್ಧಿಯಾಗಿದೆ; ಎಷ್ಟು ಹಣ ಬಳಸಲಾಗಿದೆ; (ಸಂಪೂರ್ಣ ಮಾಹಿತಿ ನೀಡುವುದು) ಹಣ ದುರುಪಯೋಗವಾಗಿದ್ದಲ್ಲಿ, ಯಾವ ಕ್ರಮ ಕೈಗೊಳ್ಳಲಾಗಿದೆ? (ಸಂಪೂರ್ಣ ಮಾಹಿತಿ ನೀಡುವುದು) | 14ನೇ ಹಣಕಾಸು ಯೋಜನೆಯಡಿ 09 ಕಾಮಗಾರಿಗಳಿಗೆ ರೂ.2,82,000/- ಮತ್ತು ಮಹಾತ್ಮ ಗಾಂಧಿ ರಾಷ್ಟ್ರೀಯ ಗ್ರಾಮೀಣ ಉದ್ಯೋಗ ಖಾತರಿ ಯೋಜನೆಯಡಿ 12 ಕಾಮಗಾರಿಗಳಿಗೆ ರೂ.21,82,000/- ಗಳನ್ನು ವಿನಿಯೋಗಿಸಲಾಗಿದೆ.<br><br>ಕಾಮಗಾರಿ ವಿವರಗಳನ್ನು ಅನುಬಂಧ-1 ರಲ್ಲಿ ನೀಡಿದೆ.<br><br>ಸದರಿ ಕಾಮಗಾರಿಗಳ ಅನುಷ್ಠಾನದಲ್ಲಿ ಹಣ ದುರುಪಯೋಗವಾಗಿರುವುದು ಕಂಡು ಬಂದಿರುವುದಿಲ್ಲ. |

ಸಂ. ಗ್ರಾಅಪ 731 ಗ್ರಾಪಂಅ 2020

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃದ್ಧಿ ಮತ್ತು ಪಂ.ರಾಜ್ ಸಚಿವರು.

ಕೆ.ಎಸ್. ಈಶ್ವರಪ್ಪ
ಗ್ರಾಮೀಣಾಭಿವೃದ್ಧಿ ಮತ್ತು
ಪಂಚಾಯತ್ ರಾಜ್ ಸಚಿವರು